ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಗುರುವಾರ, ದಿನಾಂಕ: 4ನೇ ಫೆಬ್ರುವರಿ, 2021

ಕೊಡಗು ಜಿಲ್ಲೆಯ ಕಾಫಿ ಬೆಳೆಗಾರರಿಗೆ 10 ಅಶ್ವಶಕ್ತಿವರೆಗಿನ ಪಂಪ್‌ಸೆಟ್‌ಗಳಿಗೆ ಉಚಿತ ವಿದ್ಯುತ್ ಪೂರೈಸುವ ಕುರಿತು

ಶ್ರೀಮತಿ ಎಸ್.ವೀಣಾ ಅಚ್ಚಯ್ಯ (ವಿಧಾನ ಸಭೆಯಿಂದ ಚುನಾಯಿತರಾದವರು):-

396(455) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಕೃಷಿ ಉದ್ದೇಶಕ್ಕೆ ಬಳಕೆಯಾಗುವ ರೈತರ ಎಷ್ಟು ಅಶ್ವಶಕ್ತಿವರೆಗಿನ ಪಂಪ್‌ಸೆಟ್‌ಗಳಿಗೆ ಉಚಿತ ವಿದ್ಯುತ್ ಪೂರೈಕೆ ಮಾಡಲಾಗುತ್ತಿದೆ;

(ಆ) ಕೊಡಗು ಜಿಲ್ಲೆಯಲ್ಲಿನ ಕಾಫಿ ಬೆಳೆಗಾರರು ಕಾಫಿ ಕೃಷಿ ಉದ್ದೇಶಕ್ಕೆ ಬಳಸುವ 10 ಅಶ್ವಶಕ್ತಿವರೆಗಿನ ಪಂಪ್‌ಸೆಟ್‌ಗಳಿಗೆ ಉಚಿತ ವಿದ್ಯುತ್ ಪೂರೈಕೆ ಮಾಡಲಾಗುತ್ತಿದೆಯೇ;

(ಇ) ಇಲ್ಲದಿದ್ದಲ್ಲಿ, ಕಳೆದ ಹಲವಾರು ವರ್ಷಗಳಿಂದ ಸತತವಾಗಿ ಕಾಫಿ ಬೆಳೆ ಹಾಳಾದ ಕಾರಣದಿಂದಾಗಿ ಕೊಡಗಿನ ಕಾಫಿ ಬೆಳೆಗಾರರು ತೀವ್ರ ಆರ್ಥಿಕ ಸಂಕಷ್ಟಕ್ಕೆ ಸಿಲುಕಿರುವುದನ್ನು ಪರಿಗಣಿಸಿ, ಕೊಡಗು ಜಿಲ್ಲೆಯಲ್ಲಿನ ಕಾಫಿ ಬೆಳೆಗಾರರು ಬಳಸುವ 10 ಅಶ್ವಶಕ್ತಿವರೆಗಿನ ಪಂಪ್ ಸೆಟ್‌ಗಳಿಗೆ ಉಚಿತ ವಿದ್ಯುತ್ ಪೂರೈಕೆ ಮಾಡಲು ಸರ್ಕಾರ ಕ್ರಮ ವಹಿಸುವುದೇ ?